# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 2032 (2338) |
| ಸದಸ್ಯರ ಹೆಸರು | ಶ್ರೀ ಕೆ.ಟಿ.ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ) |
| ಉತ್ತರಿಸಬೇಕಾಗಿದ್ದ ದಿನಾಂಕ | 29.03.2021 |
| ಉತ್ತರಿಸಬೇಕಾದ ಸಚಿವರು | ಉನ್ನತ ಶಿಕ್ಷಣ ಸಚಿವರು |

| | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದ ಪದವಿ ಕಾಲೇಜುಗಳಲ್ಲಿ ಖಾಲಿ ಇರುವ ಸಹಾಯಕ ಪ್ರಾಧ್ಯಾಪಕರುಗಳ ಹುದ್ದೆಗಳೆಷ್ಟು; (ವಿವರ ನೀಡುವುದು) | ಮಂಜೂರಾದ ಹುದ್ದೆಗಳು: 7604; ಕಾರ್ಯನಿರತ ಹುದ್ದೆಗಳು: 5912; ಖಾಲಿಯಿರುವ ಹುದ್ದೆಗಳು: 1692 |
| (ಆ) | ಈ ಖಾಲಿ ಇರುವ ಹುದ್ದೆಗಳನ್ನು ಯಾವ ಕಾಲಮಿತಿಯಲ್ಲಿ ಭರ್ತಿ ಮಾಡಲಾಗುವುದು; (ವಿವರ ನೀಡುವುದು) | ಕಾಲೇಜು ಶಿಕ್ಷಣ ಇಲಾಖೆ ವ್ಯಾಪ್ತಿಯ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳಲ್ಲಿ 1242 ಸಹಾಯಕ ಪ್ರಾಧ್ಯಾಪಕರ ಹುದ್ದೆಗಳನ್ನು ಭರ್ತಿ ಮಾಡುವ ಸಂಬಂಧ ವಿಶೇಷ ನೇಮಕಾತಿ ನಿಯಮಾವಳಿಗಳನ್ನು ರಚಿಸಲಾಗಿದ್ದು, ಸದರಿ ವಿಶೇಷ ನೇಮಕಾತಿ ನಿಯಮಗಳನ್ವಯ ಸಹಾಯಕ ಪ್ರಾಧ್ಯಾಪಕರ ಹುದ್ದೆಗೆ ಆಯ್ಕೆ ಪ್ರಕ್ರಿಯೆಯನ್ನು ನಡೆಸಲು ಸರ್ಕಾರದ ಅಧಿಸೂಚನೆ ಸಂಖ್ಯೆ: ಇಡಿ 257 ಡಿಸಿಇ 2019, ದಿನಾಂಕ: 15.07.2021 ರನ್ವಯ ಕರ್ನಾಟಕ ಪರೀಕ್ಷಾ ಪ್ರಾಧಿಕಾರಕ್ಕೆ ವಹಿಸಲಾಗಿದೆ. ಇದರಂತೆ, ಕರ್ನಾಟಕ ಪರೀಕ್ಷಾ ಪ್ರಾಧಿಕಾರವು ಅರ್ಹ ಅಭ್ಯರ್ಥಿಗಳಿಂದ ಅರ್ಜಿಯನ್ನು ಆಹ್ವಾನಿಸಿರುತ್ತದೆ. |
| (ಇ) | ಸಹಾಯಕ ಪ್ರಾಧ್ಯಾಪಕರ ವೃಂದ ಮತ್ತು ನೇಮಕಾತಿಗೆ ತಿದ್ದುಪಡಿ ತಂದು ಪದವಿ ಪೂರ್ವ ಕಾಲೇಜುಗಳಲ್ಲಿ ಯು.ಜಿ.ಸಿ. ಅರ್ಹತೆ ಪಡೆದಿರುವ ಉಪನ್ಯಾಸಕರುಗಳಿಗೆ ಸಹಾಯಕ ಪ್ರಾಧ್ಯಾಪಕರ ಹುದ್ದೆಗೆ ಬಡ್ತಿ ನೀಡಲು ಸರ್ಕಾರ ಕ್ರಮಕೈಗೊಳ್ಳುವುದೇ? (ವಿವರ ನೀಡುವುದು) | ಸರ್ಕಾರದ ಅಧಿಸೂಚನೆ ಸಂಖ್ಯೆ: ಇಡಿ 91 ಡಿಸಿಇ 2004, ದಿನಾಂಕ: 25.09.2009 ರಲ್ಲಿ ಜಾರಿಗೊಳಿಸಿರುವ ಕಾಲೇಜು ಶಿಕ್ಷಣ ಇಲಾಖೆಯ ವೃಂದ ಮತ್ತು ನೇಮಕಾತಿ ನಿಯಮಗಳಲ್ಲಿ ಸಹಾಯಕ ಪ್ರಾಧ್ಯಾಪಕರ ಹುದ್ದೆಗಳನ್ನು ಯು.ಜಿ.ಸಿ. ನಿಯಮಗಳನ್ವಯ ಶೇಕಡ 100 ರಷ್ಟು ನೇರ ನೇಮಕಾತಿ ಮೂಲಕ ಭರ್ತಿ ಮಾಡಬೇಕಾಗಿರುತ್ತದೆ.<br><br>ಪದವಿ ಪೂರ್ವ ಕಾಲೇಜುಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಉಪನ್ಯಾಸಕರು ಪದವಿ ಪೂರ್ವ ಶಿಕ್ಷಣ ಇಲಾಖೆ ವೃಂದ ಮತ್ತು ನೇಮಕಾತಿ ನಿಯಮಗಳನ್ವಯ ಆಯ್ಕೆ ಹೊಂದಿ ರಾಜ್ಯ ವೇತನ ಶ್ರೇಣಿಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಸರ್ಕಾರಿ ಪದವಿ ಕಾಲೇಜುಗಳ ಸಹಾಯಕ ಪ್ರಾಧ್ಯಾಪಕರು ಪಡೆಯುತ್ತಿರುವ ವೇತನ ಶ್ರೇಣಿ, ಅರ್ಹತೆಗಳಿಗಿಂತ ಭಿನ್ನವಾಗಿರುತ್ತದೆ. ಯು.ಜಿ.ಸಿ.ನಿಯಮಗಳಲ್ಲಿ ಸಹಾಯಕ ಪ್ರಾಧ್ಯಾಪಕರ ಹುದ್ದೆಗಳನ್ನು ನೇರ ನೇಮಕಾತಿಯಿಂದ ಭರ್ತಿ ಮಾಡಲು ಮಾತ್ರ ಅವಕಾಶ |

| | | |
|---|---|---|
| | | ಕಲ್ಪಿಸಲಾಗಿದ್ದು, ಪದವಿ ಪೂರ್ವ ಕಾಲೇಜಿನ ಅರ್ಹ ಉಪನ್ಯಾಸಕರುಗಳನ್ನು ಪದವಿ ಕಾಲೇಜಿಗೆ ನೇರವಾಗಿ ಬಡ್ತಿ ನೀಡಲು ಯು.ಜಿ.ಸಿ. ನಿಯಮಗಳಲ್ಲಿ ಅವಕಾಶ ಇರುವುದಿಲ್ಲ. ಹಾಗೂ ಪದವಿ ಪೂರ್ವ ಶಿಕ್ಷಣ ಇಲಾಖೆ ನೇಮಕಾತಿ ನಿಯಮಗಳಿಗೂ ಪದವಿ ಕಾಲೇಜುಗಳ ನೇಮಕಾತಿ ನಿಯಮಗಳಿಗೂ ವ್ಯತ್ಯಾಸ ಇರುವುದರಿಂದ ಪದವಿ ಪೂರ್ವ ಕಾಲೇಜುಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿರುವವರನ್ನು ಪದವಿ ಕಾಲೇಜುಗಳ ಸಹಾಯಕ ಪ್ರಾಧ್ಯಾಪಕರ ಹುದ್ದೆಗೆ ಬಡ್ತಿ ನೀಡಲು ಬರುವುದಿಲ್ಲ. ಆದ್ದರಿಂದ ಯು.ಜಿ.ಸಿ. ಅರ್ಹತೆ ಪಡೆದಿರುವ ಪದವಿ ಪೂರ್ವ ಕಾಲೇಜಿನ ಉಪನ್ಯಾಸಕರುಗಳಿಗೆ ಉನ್ನತ ಶಿಕ್ಷಣ ಇಲಾಖೆಯ ಪದವಿ ಕಾಲೇಜುಗಳಲ್ಲಿನ ಸಹಾಯಕ ಪ್ರಾಧ್ಯಾಪಕರ ಹುದ್ದೆಗೆ ಬಡ್ತಿ ನೀಡಲು ನಿಯಮಗಳಲ್ಲಿ ಅವಕಾಶವಿರುವುದಿಲ್ಲ. |

ಇಡಿ 89 ಡಿಸಿಇ 2021

(ಡಾ.ಅಶ್ವಥ್ ನಾರಾಯಣ ಸಿ.ಎನ್.)
ಉನ್ನತ ಶಿಕ್ಷಣ, ಐ.ಟಿ.-ಬಿ.ಟಿ.ವಿಜ್ಞಾನ ಮತ್ತು
ತಂತ್ರಜ್ಞಾನ ವಿದ್ಯುನ್ಮಾನ ಹಾಗೂ ಕೌಶಲ್ಯಾಭಿವೃದ್ಧಿ,
ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು